# ಕರ್ನಾಟಕ ವಿಧಾನಸಭೆ

ಹದಿನಾಲ್ಕನೇ ವಿಧಾನಸಭೆ
(ನಾಲ್ಕನೇ ಅಧಿವೇಶನ)

## ಕಾರ್ಯಕಲಾಪಗಳ ಪಟ್ಟಿ

ಶುಕ್ರವಾರ, ದಿನಾಂಕ 27ನೇ ಜೂನ್, 2014
(ಸಮಯ: ಬೆಳಗ್ಗೆ 10.00 ಗಂಟೆಗೆ)

------

### 1. ಪ್ರಶ್ನೋತ್ತರ

| | | |
|---|---|---|
| ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು | : | ಐದನೇ ಪಟ್ಟಿ |
| ಆ) ದಿನಾಂಕ 24.06.2014ರ ಎರಡನೇ ಪಟ್ಟಿಯಿಂದ ವರ್ಗಾವಣೆಗೊಂಡ ಡಾ॥ ಕೆ. ಸುಧಾಕರ್ ಅವರ ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ: 19(252) | : | ಪೌರಾಡಳಿತ, ಸ್ಥಳೀಯ ಸಂಸ್ಥೆಗಳು ಸಾರ್ವಜನಿಕ ಉದ್ದಿಮೆಗಳ ಹಾಗೂ ಅಲ್ಪಸಂಖ್ಯಾತರ ಕಲ್ಯಾಣ ಮತ್ತು ವಕ್ಫ್ ಸಚಿವರು |
| ಇ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು | : | ಐದನೇ ಪಟ್ಟಿ |

### 2.ವಿತ್ತೀಯ ಕಾರ್ಯಕಲಾಪಗಳು

2014-15ನೇ ಸಾಲಿನ ಈ ಕೆಳಕಂಡ ಅನುದಾನ ಬೇಡಿಕೆಯ ಮೇಲೆ ಚರ್ಚೆ.

| ಬೇಡಿಕೆ ಸಂಖ್ಯೆ | ಬೇಡಿಕೆಯ ಹೆಸರು |
|---|---|
| 07 | ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ |

### 3. ಗಮನ ಸೆಳೆಯುವ ಸೂಚನೆಗಳು

1. ಶ್ರೀ ಕೆ.ಎನ್. ರಾಜಣ್ಣ ಅವರು ಪಡಿತರ ವಿತರಣೆಯಲ್ಲಿ ಸುಧಾರಣೆ ತರಲು ಕೈಗೊಂಡ ಕ್ರಮಗಳಲ್ಲಿ ಎಸ್.ಎಮ್.ಎಸ್. ವ್ಯವಸ್ಥೆ ಸಮರ್ಪಕವಾಗಿಲ್ಲದಿರುವುದರಿಂದ ಉಂಟಾಗಿರುವ ತೊಂದರೆಯ ಬಗ್ಗೆ ಮಾನ್ಯ ಆಹಾರ ಮತ್ತು ನಾಗರೀಕ ಸರಬರಾಜು ಸಚಿವರ ಗಮನ ಸೆಳೆಯುವುದು.

ಮು.ತಿ.ನೋ.,

2. ಶ್ರೀ ಎಂ.ಸತೀಶ್ ರೆಡ್ಡಿ ಮತ್ತು ಶ್ರೀ ಎಸ್.ಆರ್. ವಿಶ್ವನಾಥ್ ಅವರುಗಳು ಬೆಂಗಳೂರು ದಕ್ಷಿಣ ವಲಯದ ವ್ಯಾಪ್ತಿಯಲ್ಲಿ ಹಲವು ಬಾರ್‌ಗಳು ಮತ್ತು ಮದ್ಯದಂಗಡಿಗಳು ಬೆಳಗ್ಗಿನಿಂದಲೇ ವಹಿವಾಟು ನಡೆಸುತ್ತಿರುವುದರಿಂದ ಸಾರ್ವಜನಿಕರಿಗೆ ತೊಂದರೆಯುಂಟಾಗಿರುವ ಬಗ್ಗೆ ಮಾನ್ಯ ಅಬಕಾರಿ ಸಚಿವರ ಗಮನ ಸೆಳೆಯುವುದು.

3. ಶ್ರೀ ಆರ್. ಜಗದೀಶ್ ಕುಮಾರ್ ಅವರು ಹೆಬ್ಬಾಳ ವಿಧಾನಸಭಾ ಕ್ಷೇತ್ರದ ಜೆ.ಸಿ. ನಗರದಲ್ಲಿರುವ ಸರ್ಕಾರಿ ಶಾಲೆಗಳು ಹಾಗೂ ಪದವಿ ಪೂರ್ವ ಕಾಲೇಜುಗಳು ಭಾರತೀಯ ಸೇನೆಗೆ ಸೇರಿರುವ ಸ್ಥಳದಲ್ಲಿರುವುದರಿಂದ, ಈ ಶಾಲಾ/ ಕಾಲೇಜುಗಳಿಗೆ ಮೂಲಭೂತ ಸೌಕರ್ಯ ಒದಗಿಸಲು ರಕ್ಷಣಾ ಇಲಾಖೆಯ ಅಧಿಕಾರಿಗಳು ಅಡ್ಡಿಪಡಿಸುತ್ತಿರುವ ಹಿನ್ನಲೆಯಲ್ಲಿ ಉಂಟಾಗಿರುವ ಸಮಸ್ಯೆಯ ಬಗ್ಗೆ ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಸಚಿವರ ಗಮನ ಸೆಳೆಯುವುದು.

4. ಶ್ರೀ ಹೆಚ್.ಕೆ. ಕುಮಾರಸ್ವಾಮಿ ಅವರು ಸಕಲೇಶಪುರ ಮತ್ತು ಆಲೂರು ಹಾಗೂ ಹಾಸನ ತಾಲ್ಲೂಕಿನ ಕೆಲ ಹಳ್ಳಿಗಳು ಹೇಮಾವತಿ ಜಲಾಶಯ ಯೋಜನೆಯ ಹಿನ್ನೀರಿನಿಂದ ಶೀತಪೀಡಿತಗೊಂಡಿರುವುದರಿಂದ ಆ ಹಳ್ಳಿಗಳನ್ನು ಸ್ಥಳಾಂತರಗೊಳಿಸುವ ಬಗ್ಗೆ ಮಾನ್ಯ ಭಾರೀ ಮತ್ತು ಮಧ್ಯಮ ನೀರಾವರಿ ಸಚಿವರ ಗಮನ ಸೆಳೆಯುವುದು.

5. ಶ್ರೀ ಎನ್. ಚಲುವರಾಯ ಸ್ವಾಮಿ ಅವರು ಮಂಡ್ಯ ಜಿಲ್ಲೆಯ ನಾಗಮಂಗಲ ತಾಲ್ಲೂಕು ಆಸ್ಪತ್ರೆಯಲ್ಲಿ ಅಗತ್ಯ ವೈದ್ಯರ ಹುದ್ದೆಗಳನ್ನು ಕೌನ್ಸಿಲಿಂಗ್ ವರ್ಗಾವಣೆ ನಿಮಿತ್ತ ಖಾಲಿ ಬಿಟ್ಟಿದ್ದು, ಇದರಿಂದ ಸಾರ್ವಜನಿಕರಿಗೆ ತೊಂದರೆಯುಂಟಾಗುತ್ತಿರುವುದರಿಂದ ಸದರಿ ಪದ್ಧತಿಯನ್ನು ರದ್ದುಪಡಿಸಿ, ಈಗಾಗಲೇ ಖಾಲಿ ಇರುವ ಹುದ್ದೆಗಳನ್ನು ಭರ್ತಿ ಮಾಡುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಸಚಿವರ ಗಮನ ಸೆಳೆಯುವುದು.

6. ಶ್ರೀ ಕೆ.ಎಸ್. ಮಂಜುನಾಥ ಗೌಡ ಅವರು ಮಾಲೂರು ತಾಲ್ಲೂಕಿನ ಬೆಸ್ಕಾಂ ಕಛೇರಿಯಲ್ಲಿ ದಿನಗೂಲಿ ಆಧಾರದ ಮೇಲೆ ಕಾರ್ಯನಿರ್ವಹಿಸುತ್ತಿದ್ದ ನೌಕರನು ಆಕಸ್ಮಿಕ ಮರಣ ಹೊಂದಿದ್ದು, ಇವರ ಕುಟುಂಬಕ್ಕೆ ಪರಿಹಾರ ನೀಡುವ ಬಗ್ಗೆ ಮಾನ್ಯ ಇಂಧನ ಸಚಿವರ ಗಮನ ಸೆಳೆಯುವುದು.

7. ಶ್ರೀ ಸಿ.ಟಿ. ರವಿ ಮತ್ತು ಶ್ರೀ ಡಿ.ಎನ್. ಜೀವರಾಜ್ ಅವರುಗಳು ಚಿಕ್ಕಮಗಳೂರು ಹಾಗೂ ಹಾಸನ ಜಿಲ್ಲೆಗಳ ಲೋಕೋಪಯೋಗಿ ಇಲಾಖೆಯ ವಿಭಾಗ ವ್ಯಾಪ್ತಿಯಲ್ಲಿ ಖಜಾನೆ ಇಪಿಎಫ್ ಕೋಡ್ ಬದಲಾವಣೆಯಿಂದ ಇಲಾಖೆಯ ಕಾಮಗಾರಿ ನಿರ್ವಹಿಸಿದ ಗುತ್ತಿಗೆದಾರರ ಬಿಲ್ಲುಗಳು ಪಾವತಿಯಾಗದೆ ತೊಂದರೆಯುಂಟಾಗಿರುವ ಬಗ್ಗೆ ಮಾನ್ಯ ಲೋಕೋಪಯೋಗಿ ಸಚಿವರ ಗಮನ ಸೆಳೆಯುವುದು.

8. ಶ್ರೀ ಜಿ.ಹೆಚ್. ಶ್ರೀನಿವಾಸ ಅವರು ಕೆ-ಶಿಪ್ ಯೋಜನೆಯಡಿ ಬೀರೂರಿನಿಂದ ದಾವಣಗೆರೆಯವರೆಗಿನ ರಸ್ತೆಯ ಕಾಮಗಾರಿಗೆ ಟೆಂಡರ್ ಕರೆಯಲಾಗಿದ್ದು, ಇದುವರೆವಿಗೂ ಕಾಮಗಾರಿ ಪ್ರಾರಂಭವಾಗದೆ ತೊಂದರೆಯುಂಟಾಗಿರುವ ಬಗ್ಗೆ ಲೋಕೋಪಯೋಗಿ ಸಚಿವರ ಗಮನ ಸೆಳೆಯುವುದು.

**ಪು.ತಿ.ನೋ.,**

9. ಶ್ರೀ ಹೆಚ್.ಡಿ. ರೇವಣ್ಣ ಅವರು ಹಾಸನ ತಾಲ್ಲೂಕು ಮೊಸಳೆಹೊಸಳ್ಳಿ, ಚನ್ನರಾಯಪಟ್ಟಣ ತಾಲ್ಲೂಕು ಉದಯಪುರ ಮತ್ತು ಹೊಳೆನರಸೀಪುರ ತಾಲ್ಲೂಕು ಹರಿಹರಪುರಗಳಲ್ಲಿರುವ ಸರ್ಕಾರಿ ಐ.ಟಿ.ಐ. ಕಾಲೇಜುಗಳಿಗೆ ಸರ್ಕಾರದಿಂದ ಜಮೀನು ಮಂಜೂರಾಗಿದ್ದರೂ ಸ್ವಂತ ಕಟ್ಟಡ ನಿರ್ಮಿಸದೇ ಇರುವ ಬಗ್ಗೆ ಮಾನ್ಯ ಕಾರ್ಮಿಕ ಸಚಿವರ ಗಮನ ಸೆಳೆಯುವುದು.

10. ಶ್ರೀಯುತರುಗಳಾದ ಕೆ.ಎಂ. ಶಿವಲಿಂಗೇಗೌಡ ಹಾಗೂ ಇತರರು ಹಾಸನ ಜಿಲ್ಲಾ ಕೇಂದ್ರ ಸಹಕಾರ ಸಗಟು ಮಾರಾಟ ಸಂಸ್ಥೆಯ ಆಡಳಿತ ಮಂಡಳಿಗೆ ಚುನಾವಣೆ ನಡೆಸಲು ಒಂದು ವರ್ಷಕ್ಕಿಂತಲೂ ಕಡಿಮೆ ಅವಧಿ ಇರುವ ಸಂದರ್ಭದಲ್ಲಿ ಸಂಸ್ಥೆಯ ಸದಸ್ಯತ್ವದ ಶೇರು ಮೊತ್ತವನ್ನು ಹೆಚ್ಚುಸಲು ಪ್ರಯತ್ನಿಸುತ್ತಿರುವ ಬಗ್ಗೆ ಮಾನ್ಯ ಸಹಕಾರ ಸಚಿವರ ಗಮನ ಸೆಳೆಯುವುದು.

## 4. ಅರ್ಧ ಗಂಟೆ ಕಾಲಾವಧಿ ಚರ್ಚೆ

1. ಶ್ರೀ ಬೋಪಯ್ಯ ಕೆ.ಜಿ ಅವರು "ಸ್ವಾಧೀನದಲ್ಲಿರುವ ಜಮೀನನ್ನು ತೆರವುಗೊಳಿಸುವಂತೆ ಅರಣ್ಯ ಇಲಾಖೆಯಿಂದ ನೋಟಿಸ್ ಜಾರಿಗೊಳಿಸಿರುವ" ಬಗ್ಗೆ ದಿನಾಂಕ: 23.06.2014 ರಂದು ಸದನದಲ್ಲಿ ಉತ್ತರಿಸುವ ಪ್ರಶ್ನೆಗಳ ಮೊದಲನೇ ಪಟ್ಟಿಯಲ್ಲಿನ ಪ್ರಶ್ನೆ ಸಂಖ್ಯೆ: 9(04)ಕ್ಕೆ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

2. ಶ್ರೀ ಹ್ಯಾರಿಸ್ ಎನ್.ಎ ಅವರು "ಬೃಹತ್ ಬೆಂಗಳೂರು ಮಹಾನಗರ ಪಾಲಿಕೆ ವ್ಯಾಪ್ತಿಯಲ್ಲಿನ ಸುವ್ಯವಸ್ಥಿತ ಶಾಶ್ವತ ಕಸ ವಿಲೇವಾರಿ" ಬಗ್ಗೆ ದಿನಾಂಕ 24.06.2014ರಂದು ಸದನದಲ್ಲಿ ಉತ್ತರಿಸುವ ಪ್ರಶ್ನೆಗಳ ಎರಡನೇ ಪಟ್ಟಿಯಲ್ಲಿನ ಪ್ರಶ್ನೆ ಸಂಖ್ಯೆ: 18(256)ಕ್ಕೆ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

**ಪಿ.ಓಂಪ್ರಕಾಶ**
ಕಾರ್ಯದರ್ಶಿ

Raj N

ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.
(www.kar.nic.in/kla)